ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೊಂದನೆಯ ಅಧಿವೇಶನ

ಶುಕ್ರವಾರ, ದಿನಾಂಕ: 25ನೇ ಸೆಪ್ಟಂಬರ್, 2020

ಅಂಗನವಾಡಿ ಮಕ್ಕಳಿಗೆ ನೀಡುತ್ತಿರುವ ಅಪೌಷ್ಠಿಕ ಆಹಾರದ ಬಗ್ಗೆ

ಶ್ರೀ ಅರವಿಂದ ಕುಮಾರ್ ಅರಳಿ (ವಿಧಾನಸಭೆಯಿಂದ ಚುನಾಯಿತರಾದವರು):-

591 (801) ಮಾನ್ಯ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಹಾಗೂ ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಬೀದರ್ ಜಿಲ್ಲೆಯಲ್ಲಿ ನಡೆಯುತ್ತಿರುವ M.S.N.P.C ಘಟಕಗಳು ಅಂಗನವಾಡಿ ಮಕ್ಕಳಿಗೆ ಅಪೌಷ್ಠಿಕ ಆಹಾರ ಸಾಮಗ್ರಿಗಳನ್ನು ಸರಬರಾಜು ಮಾಡುತ್ತಿರುವ ಬಗ್ಗೆ ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಈ M.S.N.P.C ಗಳ ವಿರುದ್ಧ ಸರ್ಕಾರ ಕೈಗೊಂಡ ಕ್ರಮಗಳೇನು;

(ಆ) ಕಳಪೆ ಆಹಾರ ಸಾಮಗ್ರಿಗಳನ್ನು ಸರಬರಾಜು ಮಾಡುತ್ತಿರುವ M.S.N.P.C ಗಳ ಬಗ್ಗೆ ಸರ್ಕಾರ ತನಿಖೆ ನಡೆಸುವುದೇ; ನಡೆಸದಿದ್ದರೆ, ತನಿಖೆ ನಡೆಸುವುದು ಯಾವಾಗ;

(ಇ) ಬೀದರ್ ಜಿಲ್ಲೆಯಲ್ಲಿ ಕಾರ್ಯನಿರ್ವಹಿಸುತ್ತಿರುವ ವೃದ್ಧಾಶ್ರಮ, ಅಂಗವಿಕಲರ ಕೇಂದ್ರ ಹಾಗೂ ಸ್ಪಂದನಾ ಸಂಸ್ಥೆಗಳು ಎಷ್ಟು; ಯಾವ ವರ್ಷಗಳಿಂದ ಕಾರ್ಯ ನಿರ್ವಹಿಸುತ್ತಿವೆ?(ವಿಧಾನಸಭಾ ಕ್ಷೇತ್ರವಾರು ವಿವರವನ್ನು ನೀಡುವುದು)